

# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## ಚುಕ್ಕೆ ರಹಿತ ಪ್ರಶ್ನೆ

ದಿನಾಂಕ : 17-03-2021 ಪ್ರಶ್ನೆ ಸಂಖ್ಯೆ : 1186 (1235)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಗೋವಿಂದ ರಾಜು (ವಿಧಾನಸಭೆಯಿಂದ ಚುನಾಯಿತರಾದವರು)

ಉತ್ತರ ನೀಡಬೇಕಾದ ದಿನಾಂಕ : 17-03-2021

ಉತ್ತರಿಸುವ ಸಚಿವರು : ಕಂದಾಯ ಸಚಿವರು

ವಿಷಯ : ಕಾಫಿ, ಅಡಿಕೆ, ಕಾಳುಮೆಣಸು, ಏಲಕ್ಕಿ ಬೆಳೆಯುವ ಬೆಳೆಗಾರರು ನಷ್ಟ ಹೊಂದುತ್ತಿರುವ ಬಗ್ಗೆ

(ಅ) ಕಳೆದ 3 ವರ್ಷಗಳಿಂದ ಮಲೆನಾಡು ಪ್ರದೇಶಗಳಲ್ಲಿ ಅತೀ ವೃಷ್ಠಿ ಹಾಗೂ ಅಕಾಲಿಕ ಮಳೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಹಾಗಿದ್ದಲ್ಲಿ, ಈ ಮಲೆನಾಡು ಪ್ರದೇಶಗಳಲ್ಲಿ ಬೆಳೆಯುವ ಕಾಫಿ, ಅಡಿಕೆ, ಕಾಳುಮೆಣಸು, ಏಲಕ್ಕಿ ಬೆಳೆಗಳನ್ನು ಬೆಳೆಯುವ ಬೆಳೆಗಾರರು ಸಂಪೂರ್ಣ ನಷ್ಟ ಹೊಂದುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಇ) ಈ ವರ್ಷ ಒಂದೆಡೆ ಅಪಾರ ಮಳೆಯಿಂದ ಬೆಳೆದಂತಹ ಕಾಫಿ ಉದುರಿದರೆ ಮತ್ತೊಂದಡೆ ಜನವರಿ ಮತ್ತು ಫೆಬ್ರುವರಿ ತಿಂಗಳಲ್ಲಿ ಅಕಾಲಿಕ ಮಳೆಯಿಂದ ಹಣ್ಣಾದ ಕಾಫಿ ಉದುರಿ ಹೋಗಿ ಮತ್ತೊಂದೆಡೆ ಅವಧಿ ಮುಂಚೆಯೇ ಹೂ ಅರಳಿ ಮುಂದಿನ ವರ್ಷದ ಬೆಳೆಯು ಸಹ ಇಲ್ಲದಂತಾಗಿ ಕಾಫಿ ಬೆಳೆಗಾರರು ಸಂಕಷ್ಟಕ್ಕೆ ಈಡಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಈ) ಹಾಗಿದ್ದಲ್ಲಿ, ಕಾಫಿ ಬೆಳೆಗಾರರ ಸಂಕಷ್ಟವನ್ನು ನಿವಾರಿಸಲು ಸರ್ಕಾರ ಯಾವುದಾದರೂ ನಿರ್ದಿಷ್ಟ ಕಾರ್ಯಕ್ರಮಗಳನ್ನು ರೂಪಿಸಿದೆಯೇ?